ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಶುಕ್ರವಾರ, ದಿನಾಂಕ : 29 ನೇ ಜನವರಿ, 2021

ಗ್ರಾಮ ಪಂಚಾಯತಿಗಳಲ್ಲಿ ಮಕ್ಕಳ ಹಕ್ಕುಗಳ ಗ್ರಾಮ ಸಭೆಗಳನ್ನು ನಡೆಸುವ ಬಗ್ಗೆ

ಶ್ರೀ ಬಿ. ಕೆ. ಹರಿಪ್ರಸಾದ್(ವಿಧಾನಸಭೆಯಿಂದ ಚುನಾಯಿತರಾದವರು) -

04 (47) ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ರಾಜ್ಯದಲ್ಲಿರುವ ಎಲ್ಲಾ ಗ್ರಾಮ ಪಂಚಾಯಿತಿಗಳಲ್ಲಿ ಮಕ್ಕಳ ಹಕ್ಕುಗಳ ಗ್ರಾಮ ಸಭೆಗಳನ್ನು ಸರಿಯಾಗಿ ನಿಭಾಯಿಸಿದೇ ಇದ್ದರೂ ಸಹ ಇಲಾಖೆಯ ಪಿ.ಡಿ.ಓ.ಗಳು ಗ್ರಾಮ ಸಭೆಗಳು ಆಗಿದೆ ಎಂದು ಸರ್ಕಾರಕ್ಕೆ ತಪ್ಪು ವರದಿಗಳನ್ನು ನೀಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಇದರಿಂದ ಗ್ರಾಮ ಪಂಚಾಯತಿಗಳು ಮಕ್ಕಳ ಸಮಸ್ಯೆಗೆ ಸ್ಪಂದಿಸುತ್ತಿಲ್ಲದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಅಂತಹ ಗ್ರಾಮ ಪಂಚಾಯಿತಿಯ ಪಿ.ಡಿ.ಓ.ಗಳ ಮೇಲೆ ಕೈಗೊಂಡ ಕ್ರಮಗಳೇನು;

(ಆ) ಮಕ್ಕಳ ಹಕ್ಕುಗಳ ಗ್ರಾಮ ಸಭೆಯನ್ನು ಸರಿಯಾಗಿ ನಿಭಾಯಿಸುತ್ತಿಲ್ಲದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಮಕ್ಕಳ ಸಮಸ್ಯೆಗಳನ್ನು ಬಗೆಹರಿಸಲು ಸರ್ಕಾರ ಕೈಗೊಂಡ ಕ್ರಮಗಳೇನು?